ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 03 ನೇ ಮಾರ್ಚ್, 2020

ದ್ರಾಕ್ಷಿ ಬೆಳೆಗಾರರ ಸಮಸ್ಯೆ ಕುರಿತು

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

158 (180) ಮಾನ್ಯ ಪೌರಾಡಳಿತ ಹಾಗೂ ತೋಟಗಾರಿಕೆ ಮತ್ತು ರೇಷ್ಮೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಉತ್ತರ ಕರ್ನಾಟಕದ ತೋಟಗಾರಿಕೆ ಮುಖ್ಯ ಬೆಳೆಯಾದ ದ್ರಾಕ್ಷಿ ಬೆಳೆಗಾರರು ಪ್ರತಿ ವರ್ಷ ಬೆಳೆದ ಉತ್ಪನ್ನಗಳಿಗೆ ನ್ಯಾಯ ಸಮ್ಮತ ಬೆಲೆ ಸಿಗದೆ ಸಮಸ್ಯೆ ಎದುರಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಒಟ್ಟು ಎಷ್ಟು ಜಮೀನಿನಲ್ಲಿ ಎಷ್ಟು ಪ್ರಮಾಣದ ದ್ರಾಕ್ಷಿಯನ್ನು ಉತ್ಪಾದಿಸಲಾಗುತ್ತಿದೆ ; (ಜಿಲ್ಲಾವಾರು ಮಾಹಿತಿ ನೀಡುವುದು)

(ಇ) ರಾಜ್ಯದಲ್ಲಿ ಪ್ರತಿ ವರ್ಷ ಎಷ್ಟು ಹೆಕ್ಟೇರ್ ಜಮೀನಿನಲ್ಲಿ ದ್ರಾಕ್ಷಿ ಬೆಳೆ ಬೆಳೆಯಲಾಗುತ್ತದೆ ;

(ಈ) ದ್ರಾಕ್ಷಿ ಹಣ್ಣನ್ನು ರಫ್ತು ಮಾಡುವುದರ ಮುಖಾಂತರ ರೈತರಿಗೆ ಯೋಗ್ಯ ಬೆಲೆ ದೊರಕಿಸಿಕೊಡುವುದರೊಂದಿಗೆ ವಿದೇಶಿ ವಿನಿಮಯದಲ್ಲಿ ಗಳಿಕೆ ಮಾಡಲು ಸರ್ಕಾರ ಯಾವ ಕ್ರಮ ಕೈಗೊಂಡಿದೆ ?